ಸದನದಲ್ಲಿ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೆರಡನೆಯ ಅಧಿವೇಶನ

ಶುಕ್ರವಾರ, ದಿನಾಂಕ: 11ನೇ ಡಿಸೆಂಬರ್, 2020

ವಿಕಲಚೇತನರಿಗೆ ಜಾರಿಗೊಳಿಸಿರುವ ಯೋಜನೆಗಳ ಕುರಿತು

ಶ್ರೀ ಗೋವಿಂದ ರಾಜು (ವಿಧಾನಸಭೆಯಿಂದ ಚುನಾಯಿತರಾದವರು) -

62(371) ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಹಾಗೂ ವಿಕಲಚೇತನರ ಮತ್ತು ಹಿರಿಯನಾಗರಿಕರ ಸಬಲೀಕರಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ-

(ಅ) ರಾಜ್ಯದಲ್ಲಿ ಕಳೆದ 3 ವರ್ಷಗಳಲ್ಲಿ ವಿಕಲಚೇತನರಿಗೆ ಜಾರಿಗೊಳಿಸಿರುವ ಯೋಜನೆಗಳು ಯಾವುವು; (ಸಂಪೂರ್ಣ ಮಾಹಿತಿ ನೀಡುವುದು)

(ಆ) ಕಳೆದ 3 ವರ್ಷಗಳಲ್ಲಿ ಕೋಲಾರ ಜಿಲ್ಲೆಗೆ ವಿಕಲಚೇತನರ ಅಭಿವೃದ್ಧಿಗಾಗಿ ಸರ್ಕಾರ ನಿಗಧಿಪಡಿಸಿ, ಬಿಡುಗಡೆ ಮಾಡಿದ ವೆಚ್ಚವೆಷ್ಟು; (ಯೋಜನೆಗಳವಾರು ವಿವರ ನೀಡುವುದು)

(ಇ) ಕಳೆದ 3 ವರ್ಷಗಳಲ್ಲಿ ಕೋಲಾರ ಜಿಲ್ಲೆಯಲ್ಲಿ ವಿಕಲಚೇತನರಿಂದ ದ್ವಿಚಕ್ರ ವಾಹನಗಳಿಗಾಗಿ ಬಂದಿರುವ ಅರ್ಜಿಗಳ ಸಂಖ್ಯೆ ಎಷ್ಟು; (ತಾಲ್ಲೂಕುವಾರು ಸಂಪೂರ್ಣ ಮಾಹಿತಿ ನೀಡುವುದು)

(ಈ) ಇವುಗಳಲ್ಲಿ ಇದುವರೆವಿಗೂ ವಿಲೇವಾರಿಯಾಗಿರುವ ಮತ್ತು ವಿಲೇವಾರಿಯಾಗದಿರುವ ಅರ್ಜಿಗಳ ಸಂಖ್ಯೆ ಎಷ್ಟು; ವಿಲೇವಾರಿಯಾಗದೆ ಉಳಿದಿರಲು ಕಾರಣಗಳೇನು; (ತಾಲ್ಲೂಕುವಾರು ಸಂಪೂರ್ಣ ಮಾಹಿತಿ ನೀಡುವುದು)

(ಉ) ವಿಲೇವಾರಿಯಾಗದೆ ಉಳಿದಿರುವ ಅರ್ಜಿಗಳನ್ನು ಯಾವ ಕಾಲಮಿತಿಯೊಳಗಾಗಿ ವಿಲೇವಾರಿ ಮಾಡಲಾಗುವುದು;

(ಊ) ಪ್ರಸ್ತುತ ಇವರುಗಳಿಗೆ ನೀಡುತ್ತಿರುವ ಮಾಶಾಸನದ ಮೊತ್ತವೆಷ್ಟು; ಸದರಿ ಮೊತ್ತವನ್ನು ಹೆಚ್ಚಿಸುವ ಪ್ರಸ್ತಾವನೆ ಸರ್ಕಾರದ ಮುಂದಿದೆಯೇ; ಹಾಗಿದ್ದಲ್ಲಿ, ಯಾವಾಗ ಎಷ್ಟು ಪ್ರಮಾಣದಲ್ಲಿ ಹೆಚ್ಚಿಸಲಾಗುವುದು ಮತ್ತು ಎಂದಿನಿಂದ ಜಾರಿಗೆ ತರಲಾಗುವುದು?